


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 15-03-2021 ಪ್ರಶ್ನೆ ಸಂಖ್ಯೆ : 1022(979)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎನ್. ರವಿಕುಮಾರ್(ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 15-03-2021

ಉತ್ತರಿಸುವ ಸಚಿವರು: ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು

ವಿಷಯ : ಸರ್ಕಾರಿ ಮತ್ತು ಅನುದಾನಿತ ಪದವಿ ಕಾಲೇಜುಗಳ ಕುರಿತು

(ಅ) ರಾಜ್ಯದಲ್ಲಿರುವ ಸರ್ಕಾರಿ ಮತ್ತು ಅನುದಾನಿತ ಪದವಿ ಕಾಲೇಜುಗಳೆಷ್ಟು; (ಜಿಲ್ಲಾವಾರು ವಿವರ ನೀಡುವುದು) ಈ ಕಾಲೇಜುಗಳಲ್ಲಿ ಪ್ರಾಂಶುಪಾಲರ ಹುದ್ದೆಗಳು ಖಾಲಿ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಖಾಲಿಯಿರುವ ಪ್ರಾಂಶುಪಾಲರ ಹುದ್ದೆಗಳನ್ನು ಭರ್ತಿ ಮಾಡಲು ಕೈಗೊಂಡಿರುವ ಕ್ರಮಗಳೇನು; ಕಳೆದ 24 ತಿಂಗಳಿನಿಂದ ಎಷ್ಟು ಹುದ್ದೆಗಳನ್ನು ಭರ್ತಿ ಮಾಡಲಾಗಿದೆ;

(ಇ) ಸರ್ಕಾರಿ ಪದವಿ ಕಾಲೇಜುಗಳಲ್ಲಿ ವಿದ್ಯಾರ್ಥಿಗಳ ಕೊರತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಸಮಸ್ಯೆ ಪರಿಹಾರಕ್ಕೆ ಕೈಗೊಂಡಿರುವ ಕ್ರಮಗಳೇನು;

(ಈ) ಪದವಿ ಕಾಲೇಜುಗಳಲ್ಲಿ ಬೇಡಿಕೆ ಇಲ್ಲದ ವಿಷಯ (ಕೋರ್ಸ್ )ಗಳನ್ನು ಬೋಧನೆ ಮಾಡುತ್ತಿರುವುದರಿಂದ ಈ ಕೋರ್ಸ್‌ಗಳನ್ನು ಪುನರ್ ರಚನೆ ಮಾಡುವ ಅವಶ್ಯಕತೆ ಇದ್ದು, ಈ ಕುರಿ ಸರ್ಕಾರದ ನಿಲುವೇನು?